# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 798
ವಿಧಾನ ಪರಿಷತ್ತಿನ ಸದಸ್ಯರ ಹೆಸರು : ಶ್ರೀ ಪ್ರಕಾಶ್ ಕೆ ರಾಥೋಡ್ (ನಾಮ ನಿರ್ದೇಶನ ಹೊಂದಿದವರು)
ಉತ್ತರಿಸಬೇಕಾದ ದಿನಾಂಕ : 15.12.2020
ಉತ್ತರಿಸುವ ಸಚಿವರು : ಆಹಾರ, ನಾಗರಿಕ ಸರಬರಾಜು ಮತ್ತು ಗ್ರಾಹಕರ ವ್ಯವಹಾರಗಳ ಹಾಗೂ ಕಾನೂನು ಮಾಪನಶಾಸ್ತ್ರ ಇಲಾಖಾ ಸಚಿವರು.

| ಕ್ರ. ಸಂ | ಪ್ರಶ್ನೆ | ಉತ್ತರ |
|---|---|---|
| ಅ | ಬಿ.ಪಿ.ಎಲ್ ಹಾಗೂ ಎ.ಪಿ.ಎಲ್ ಕಾರ್ಡ್ ದಾರರಿಗೆ ಎಷ್ಟು ಪ್ರಮಾಣದಲ್ಲಿ ದವಸ ಧಾನ್ಯಗಳು ಹಾಗೂ ಇನ್ನಿತರೆ ವಸ್ತುಗಳನ್ನು ವಿತರಿಸಲಾಗಿದೆ; | ಪ್ರತಿ ತಿಂಗಳು ಅಂತ್ಯೋದಯ ( ಎಎವೈ) ಪಡಿತರ ಚೀಟಿಗಳಿಗೆ 35 ಕೆ.ಜಿ. ಅಕ್ಕಿಯನ್ನು, ಪ್ರತಿ ಆದ್ಯತಾ (ಬಿಪಿಎಲ್) ಪಡಿತರ ಚೀಟಿಯ ಪ್ರತಿ ಫಲಾನುಭವಿಗೆ 5 ಕೆ.ಜಿ. ಅಕ್ಕಿಯನ್ನು ಹಾಗೂ ಪ್ರತಿ ಪಡಿತರ ಚೀಟಿಗೆ 2 ಕೆ.ಜಿ ಗೋಧಿಯನ್ನು ಉಚಿತವಾಗಿ ವಿತರಿಸಲಾಗುತ್ತಿದೆ. ಆದ್ಯತೇತರ (ಎಪಿಎಲ್) ಏಕ ಸದಸ್ಯ ಪಡಿತರ ಚೀಟಿಗೆ 5 ಕೆ.ಜಿ. ಅಕ್ಕಿ ಮತ್ತು ಒಬ್ಬರಿಗಿಂತ ಹೆಚ್ಚಿನ ಸದಸ್ಯರ ಪಡಿತರ ಚೀಟಿಗೆ 10 ಕೆ.ಜಿ. ಅಕ್ಕಿಯನ್ನು ಪ್ರತಿ ಕೆ.ಜಿ ಗೆ ರೂ.15/-ರ ಸಬ್ಸಿಡಿ ದರದಲ್ಲಿ ವಿತರಿಸಲಾಗುತ್ತಿದೆ. |
| ಆ | ರಾಜ್ಯದಲ್ಲಿ ಬಿ.ಪಿ.ಎಲ್ ಕಾರ್ಡ್ ದಾರರ ಸಂಖ್ಯೆ ಎಷ್ಟು; | ರಾಜ್ಯದಲ್ಲಿ ಒಟ್ಟು 10,92,605 ಅಂತ್ಯೋದಯ (ಎಎವೈ) ಪಡಿತರ ಚೀಟಿ ಹಾಗೂ 11700823 ಆದ್ಯತಾ (ಬಿಪಿಎಲ್) ಪಡಿತರ ಚೀಟಿಗಳಿರುತ್ತದೆ. |
| ಇ | ಆರ್ಥಿಕವಾಗಿ ಸಬಲರಾಗಿರುವವರು ಬಿ.ಪಿ.ಎಲ್ ಕಾರ್ಡ್ ಹೊಂದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ ಸರ್ಕಾರ ಕೈಗೊಂಡ ಕ್ರಮಗಳಾವುವು? | ಬಿ.ಪಿ.ಎಲ್ ಪಡಿತರ ಚೀಟಿ ಪಡೆಯಲು ಸರ್ಕಾರದಿಂದ ಮಾನದಂಡಗಳನ್ನು ನಿಗಧಿಪಡಿಸಲಾಗಿದ್ದು, ಸದರಿ ಮಾನದಂಡಗಳನ್ನು ಉಲ್ಲಂಘಿಸಿ ಬಿಪಿಎಲ್ ಪಡಿತರ ಚೀಟಿ ಪಡೆದುಕೊಂಡಿರುವವರನ್ನು ಪತ್ತೆ ಹಚ್ಚಿ ಪಡಿತರ ಚೀಟಿಯನ್ನು ರದ್ದುಪಡಿಸುವ ಅಥವಾ ಎ.ಪಿ.ಎಲ್ ಪಡಿತರ ಚೀಟಿಯನ್ನಾಗಿ ಪರಿವರ್ತಿಸುವ ಕಾರ್ಯ ಸತತವಾಗಿ ಜಾರಿಯಲ್ಲಿದೆ. |

ಆನಾಸ 72 ಆನಾಸ 2020 (ಇ-ಆಫೀಸ್)

(ಕೆ.ಗೋಪಾಲಯ್ಯ)
ಆಹಾರ, ನಾಗರಿಕ ಸರಬರಾಜು ಮತ್ತು
ಗ್ರಾಹಕರ ವ್ಯವಹಾರಗಳ ಹಾಗೂ
ಕಾನೂನು ಮಾಪನಶಾಸ್ತ್ರ ಇಲಾಖಾ ಸಚಿವರು.